ಲಿಖಿತ ಮೂಲಕ ಉತ್ತರಿಸುವ

# ಕರ್ನಾಟಕ ವಿಧಾನ ಪರಿಷತ್ತು

ನೂರ ಮೂವತ್ತೆಂಟನೆಯ ಅಧಿವೇಶನ

ಬುಧವಾರ, ದಿನಾಂಕ: 17ನೇ ಜುಲೈ, 2019

ಚಾಮರಾಜನ ಗರ ಜಿಲ್ಲೆಯ ಅಂಗನವಾಡಿ ಕಟ್ಟಡಗಳ ನಿರ್ಮಾಣದ ಬಗ್ಗೆ

ಶ್ರೀಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ) :-

262 (171) ಮಾನ್ಯ ಮಹಿಳೆಯರ ಮತ್ತು ಮಕ್ಕಳ ಅಭಿವೃದ್ಧಿ, ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಚಾಮರಾಜನಗರ ಜಿಲ್ಲೆಯಲ್ಲಿರುವ ಅಂಗನವಾಡಿ ಕೇಂದ್ರಗಳೆಷ್ಟು; ಇವುಗಳಲ್ಲಿ ಸ್ವಂತ ಕಟ್ಟಡ ಇಲ್ಲದ ಅಂಗನವಾಡಿ ಕೇಂದ್ರಗಳೆಷ್ಟು ; (ವಿವರ ನೀಡುವುದು)

(ಆ) ಕಳೆದ 5 ವರ್ಷಗಳಿಂದ ಹಿಂದುಳಿದ ತಾಲ್ಲೂಕುಗಳ ಅಭಿವೃದ್ಧಿಗೆಂದು ಲಭ್ಯವಿರುವ ಅನುದಾನದಲ್ಲಿ ಅಂಗನವಾಡಿ ಕಟ್ಟಡಗಳನ್ನು ನಿರ್ಮಿಸಲು ಜಿಲ್ಲೆಗೆ ಎಷ್ಟು ಅನುದಾನ ಬಿಡುಗಡೆ ಮಾಡಲಾಗಿದೆ; (ವಿವರ ನೀಡುವುದು)

(ಇ) ಈ ಅನುದಾನದಲ್ಲಿ ಎಷ್ಟು ಅಂಗನವಾಡಿ ಕೇಂದ್ರಗಳನ್ನು ನಿರ್ಮಿಸಲಾಗಿದೆ ; (ವಿವರ ನೀಡುವುದು)

(ಈ) ಸ್ವಂತ ಕಟ್ಟಡಗಳಿಲ್ಲದ ಅಂಗನವಾಡಿ ಕೇಂದ್ರಗಳಿಗೆ ಯಾವಾಗ ಕಟ್ಟಡಗಳನ್ನು ನಿರ್ಮಿಸಲಾಗುವುದು ? (ವಿವರ ನೀಡುವುದು)